ಲಿಖಿತ ಮೂಲಕ ಉತ್ತರಿಸುವ

# ಕರ್ನಾಟಕ ವಿಧಾನ ಪರಿಷತ್ತು

ನೂರ ಮೂವತ್ತೆಂಟನೆಯ ಅಧಿವೇಶನ

ಗುರುವಾರ, ದಿನಾಂಕ: 18ನೇ ಜುಲೈ, 2019

ಗಣಿ ಮತ್ತು ಭೂ ವಿಜ್ಞಾನ ಇಲಾಖೆಯ ಅವ್ಯವಹಾರಗಳ ಕುರಿತು

ಶ್ರೀ ಮರಿತಿಬ್ಬೇಗೌಡ (ಶಿಕ್ಷಕರ ಕ್ಷೇತ್ರ) :-

306 (405) ಮಾನ್ಯ ಗಣಿ ಮತ್ತು ಭೂವಿಜ್ಞಾನ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಗಣಿ ಮತ್ತು ಭೂ ವಿಜ್ಞಾನ ಇಲಾಖೆಯಲ್ಲಿ ಭ್ರಷ್ಟಾಚಾರ ಮತ್ತು ಅವ್ಯವಹಾರಗಳಿಗೆ ಸಂಬಂಧಪಟ್ಟಂತೆ ಒಟ್ಟು ಎಷ್ಟು ಪ್ರಕರಣಗಳಿವೆ ; ಈ ಪೈಕಿ ಇತ್ಯರ್ಥಗೊಂಡಿರುವ ಮತ್ತು ಬಾಕಿ ಇರುವ ಪ್ರಕರಣಗಳ ಸಂಖ್ಯೆ ಎಷ್ಟು ; (ಪ್ರಕರಣವಾರು ಸಂಪೂರ್ಣ ಮಾಹಿತಿ ನೀಡುವುದು)

(ಆ) ಈ ಪ್ರಕರಣಗಳಲ್ಲಿ ಭಾಗಿಯಾಗಿರುವ ಇಲಾಖೆಯ ಎ,ಬಿ, ಮತ್ತು ಸಿ ದರ್ಜೆಯ ಅಧಿಕಾರಿ/ನೌಕರರ ಸಂಪೂರ್ಣ ಮಾಹಿತಿಯನ್ನು ಅವರ ಹುದ್ದೆ ಸಹಿತ ನೀಡುವುದು ; ಸದರಿ ಅಧಿಕಾರಿ/ನೌಕರರು ಹಾಲಿ ಯಾವ ಯಾವ ಇಲಾಖೆಗಳಲ್ಲಿ ಯಾವ್ಯಾವ ಹುದ್ದೆಗಳಲ್ಲಿ ಕರ್ತವ್ಯ ನಿರ್ವಹಿಸುತ್ತಿದ್ದಾರೆ ; (ಪ್ರಕರಣವಾರು ಸಂಪೂರ್ಣ ವಿವರ ನೀಡುವುದು)

(ಇ) ಈ ಪ್ರಕರಣಗಳಿಗೆ ಸಂಬಂಧಪಟ್ಟಂತೆ ನ್ಯಾಯಾಲಯದಲ್ಲಿ ಆರೋಪ ಪಟ್ಟಿ ಸಲ್ಲಿಕೆಯಾಗಿ ವಿಚಾರಣೆಯ ಹಂತದಲ್ಲಿರುವ ಪ್ರಕರಣಗಳು ಎಷ್ಟು ; ಅವು ಯಾವುವು ; ನ್ಯಾಯಾಲಯದಲ್ಲಿರುವ ಈ ಪ್ರಕರಣಗಳು 30 ಜೂನ್ 2019ರ ಅಂತ್ಯಕ್ಕೆ ಯಾವ ಹಂತದಲ್ಲಿವೆ ; (ಪ್ರಕರಣವಾರು ಸಂಪೂರ್ಣ ಮಾಹಿತಿ ನೀಡುವುದು)

(ಈ) ನ್ಯಾಯಾಲಯದಲ್ಲಿ ಆರೋಪ ಪಟ್ಟಿ ಸಲ್ಲಿಕೆಯಾಗಿರುವ ಪ್ರಕರಣಗಳೂ ಸೇರಿದಂತೆ ಇಲಾಖೆಯಲ್ಲಿನ ಈ ಭ್ರ ಭ್ರಷ್ಟಾಚಾರ ಹಾಗೂ ಅವ್ಯವಹಾರಗಳಿಗೆ ಸಂಬಂಧಪಟ್ಟಂತೆ ಎಷ್ಟು ಜನ ಅಧಿಕಾರಿಗಳ ವಿರುದ್ಧ ಸಿ.ಸಿ.ಎ ನಿಯಮಾವಳಿ ಅಡಿಯಲ್ಲಿ ಯಾವ ಶಿಸ್ತು ಕ್ರಮಗಳನ್ನು ಕೈಗೊಳ್ಳಲಾಗಿದೆ ?